ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತೆರಡನೆಯ ಅಧಿವೇಶನ

ಗುರುವಾರ, ದಿನಾಂಕ : 10 ನೇ ಡಿಸೆಂಬರ್, 2020

ರಾಜ್ಯದಲ್ಲಿ ಇತ್ತೀಚೆಗೆ ಕಡಿಮೆಯಾಗುತ್ತಿರುವ ಅಂತರ್ಜಲದ ಬಗ್ಗೆ

ಶ್ರೀ ಕವಟಗಿಮಠ ಮಹಾಂತೇಶ್ ಮಲ್ಲಿಕಾರ್ಜುನ(ಸ್ಥಳೀಯ ಸಂಸ್ಥೆಗಳ ಕ್ಷೇತ್ರ) -

313 (243) ಮಾನ್ಯ ಜಲಸಂಪನ್ಮೂಲ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ -

(ಅ) ರಾಜ್ಯದಲ್ಲಿ ಇತ್ತೀಚಿನ ವರ್ಷಗಳಲ್ಲಿ ಮಳೆಯ ಪ್ರಮಾಣವು ವರ್ಷದಿಂದ ವರ್ಷಕ್ಕೆ ಕಡಿಮೆಯಾಗುತ್ತಿದ್ದು, ಅಂತರ್ಜಲ ಸ್ಥಿತಿ ಗಂಭೀರವಾಗುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೆ;

(ಆ) ರಾಜ್ಯದ ಎಷ್ಟು ತಾಲ್ಲೂಕುಗಳಲ್ಲಿ ಅಂತರ್ಜಲ ಸ್ಥಿತಿ ಗಂಭೀರವೆಂದು ಗುರುತಿಸಲಾಗಿದೆ;

(ಇ) ನೀರಿನ ಕೊರತೆ ಇರುವ ತಾಲ್ಲೂಕುಗಳಲ್ಲಿ ಜಲಸಂರಕ್ಷಣೆ, ಮಳೆ ನೀರು ಕೊಯ್ಲು ಚಟುವಟಿಕೆಗಳಿಗಾಗಿ ಎಷ್ಟು ಹಣವನ್ನು ಮೀಸಲಿಡಲಾಗಿದೆ;

(ಈ) ಸದರಿ ಯೋಜನೆಯಡಿಯಲ್ಲಿ ಎಷ್ಟು ಹೆಕ್ಟೇರ್ ಪ್ರದೇಶವನ್ನು ಜಲಾನಯನ ನಿರ್ವಹಣೆಗೆ ತೆಗೆದುಕೊಳ್ಳಲಾಗಿದೆ?